ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 03 ನೇ ಮಾರ್ಚ್, 2020

ನ್ಯಾಯಬೆಲೆ ಅಂಗಡಿಯಲ್ಲಿ ವಿತರಿಸುವಾಗ ಆಗುವ ಲೋಪದ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

154 (176) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ನ್ಯಾಯಬೆಲೆ ಅಂಗಡಿಗಳಿಗೆ ಬಿ.ಪಿ.ಎಲ್/ಎ.ಪಿ.ಎಲ್ ಹಾಗೂ ಅಂತ್ಯೋದಯ ಕಾರ್ಡುದಾರರಿಗೆ ವಿತರಿಸುವ ಪಡಿತ¢ ಅಕ್ಕಿ ಹಾಗೂ ಇತರೆ ದಿನಸಿ ಪದಾರ್ಥಗಳು ಸಂಪೂರ್ಣವಾಗಿ ಫಲಾನುಭವಿಗಳಿಗೆ ತಲುಪದೆ ಅಕ್ರಮ ನಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಅಕ್ರಮ ತಡೆಗಟ್ಟುವ ನಿಟ್ಟಿನಲ್ಲಿ ಸರ್ಕಾರ ಯಾವ ಕ್ರಮಗಳನ್ನು ಕೈಗೊಂಡಿದೆ ಹಾಗೂ ಕಳೆದ ಎರಡು ವರ್ಷಗಳ ಅವಧಿಯಲ್ಲಿ ಸಂಭವಿಸಿದ ದುರುಪಯೋಗದ ಪ್ರಕರಣಗಳೆಷ್ಟು;

(ಇ) ಅಕ್ರಮಗಳಲ್ಲಿ ಭಾಗಿಯಾದ ಅಧಿಕಾರಿ ಹಾಗೂ ಸಿಬ್ಬಂದಿಗಳ ವಿರುದ್ಧ ಸರ್ಕಾರ ಯಾವ ಶಿಸ್ತಿನ ಕ್ರಮ ಕೈಗೊಂಡಿದೆ ;

(ಈ) ಪ್ರತೀ ಕಾರ್ಡುದಾರರಿಗೆ ವಿವಿಧ ಯೋಜನೆಯಡಿಯಲ್ಲಿ ವಿತರಿಸುತ್ತಿರುವ ಧಾನ್ಯಗಳ ಪ್ರಮಾಣ ಹಾಗೂ ಒಟ್ಟು ಫಲಾನುಭವಿಗಳ ಸಂಖ್ಯೆ ಎಷ್ಟು ? (ಜಿಲ್ಲಾವಾರು ವಿವರ ನೀಡುವುದು)